

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ರಹಿತ ಪ್ರಶ್ನೆ

ದಿನಾಂಕ : 29-03-2021 ಪ್ರಶ್ನೆ ಸಂಖ್ಯೆ : 2037 (2399)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಸುನೀಲ್ ವಲ್ಯಾಪುರ್ (ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 29-03-2021

ಉತ್ತರಿಸುವ ಸಚಿವರು: ಅರಣ್ಯ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು

ವಿಷಯ : ಕಲಬುರಗಿ ಜಿಲ್ಲೆಯ ಅರಣ್ಯ ಪ್ರದೇಶದ ಒತ್ತುವರಿ ಕುರಿತು

(ಅ) ಕಲಬುರಗಿ ಜಿಲ್ಲೆಯಲ್ಲಿರುವ ಅರಣ್ಯ ಪ್ರದೇಶವೆಷ್ಟು; (ತಾಲ್ಲೂಕುವಾರು ಮಾಹಿತಿ ನೀಡುವುದು)

(ಆ) ಅರಣ್ಯ ಪ್ರದೇಶವನ್ನು ಒತ್ತುವರಿ ಮಾಡುತ್ತಿರುವುದು ಸರಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಒತ್ತುವರಿ ಮಾಡಿರುವ ವಿಸ್ತೀರ್ಣ ಎಷ್ಟು; ಮತ್ತು ಒತ್ತುವರಿ ಮಾಡಿರುವವರ ವಿರುದ್ಧ ದಾಖಲಾದ ಪ್ರಕರಣಗಳೆಷ್ಟು; (ತಾಲ್ಲೂಕುವಾರು ಮಾಹಿತಿ ನೀಡುವುದು)

(ಇ) ಅರಣ್ಯ ಪ್ರದೇಶದ ಒತ್ತುವರಿ ತಡೆಗಟ್ಟಲು ಸರಕಾರ ಕೈಗೊಂಡಿರುವ ಕ್ರಮಗಳೇನು?